ಸದನದಲ್ಲಿ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಶುಕ್ರವಾರ, ದಿನಾಂಕ: 11ನೇ ಡಿಸೆಂಬರ್, 2020

ಕೊಡಗು ಜಿಲ್ಲೆಯ ಖಾಸಗಿ ಬಸ್ ಮಾಲೀಕರ ಬೇಡಿಕೆಗಳ ಕುರಿತು

ಶ್ರೀಮತಿ ಎಸ್. ವೀಣಾ ಅಚ್ಚಯ್ಯ (ವಿಧಾನಸಭೆಯಿಂದ ಚುನಾಯಿತರಾದವರು) -

68(524) ಉಪ ಮುಖ್ಯಮಂತ್ರಿಗಳು ಹಾಗೂ ಸಾರಿಗೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ಕೊಡಗು ಜಿಲ್ಲೆ ಗುಡ್ಡಗಾಡು ಪ್ರದೇಶವಾಗಿದ್ದು, ಸಂಪರ್ಕ ಕಷ್ಟಸಾಧ್ಯವಾಗಿರುವ ಜಿಲ್ಲೆಯ ಹಲವಾರು ದೂರದ ಗ್ರಾಮಗಳಿಗೆ ಇದುವರೆಗೆ ಬಸ್ ಸಂಚಾರ ವ್ಯವಸ್ಥೆ ಕಲ್ಪಿಸುತ್ತಿದ್ದ ಖಾಸಗಿ ಬಸ್ ಮಾಲೀಕರು ಕೋವಿಡ್ ಪರಿಸ್ಥಿತಿಯಿಂದಾಗಿ ನಷ್ಟ ಅನುಭವಿಸಿ ಬಸ್ ಸಂಚಾರ ನಿಲ್ಲಿಸಿರುವುದರಿಂದ ಸಾರ್ವಜನಿಕರಿಗೆ ತೊಂದರೆಯಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಖಾಸಗಿ ಬಸ್ ಮಾಲೀಕರು, ಕೋವಿಡ್ ಪರಿಸ್ಥಿತಿಯಿಂದಾಗಿ ಆಗಿರುವ ನಷ್ಟದ ಹಿನ್ನೆಲೆಯಲ್ಲಿ ತೆರಿಗೆ ವಿನಾಯಿತಿ ಹಾಗೂ ಡೀಸೆಲ್ ಬೆಲೆಯಲ್ಲಿ ರಿಯಾಯಿತಿ ನೀಡಲು ಸರ್ಕಾರ ಕ್ರಮ ವಹಿಸುವುದೇ;

(ಇ) ಜಿಲ್ಲೆಯಲ್ಲಿ ಸಂಪರ್ಕ ಕಷ್ಟಸಾಧ್ಯವಾಗಿರುವ ಹಲವಾರು ದೂರದ ಗ್ರಾಮಗಳಿಗೆ ಬಸ್ ಸಂಚಾರ ವ್ಯವಸ್ಥೆ ಮರು ಕಲ್ಪಿಸಲು ಸರ್ಕಾರ ಕೈಗೊಳ್ಳಲಿರುವ ಕ್ರಮವೇನು?